# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 697
ಉತ್ತರಿಸಬೇಕಾದ ದಿನಾಂಕ : 17.09.2021.
ಸದಸ್ಯರ ಹೆಸರು : ಶ್ರೀ ಬಿ.ಜಿ. ಪಾಟೀಲ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರದಿಂದ ಚುನಾಯಿತರಾದವರು)
ಉತ್ತರಿಸುವ ಸಚಿವರು : ಮಾನ್ಯ ರೇಷ್ಮೆ, ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು.

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ಯಾದಗಿರಿ ಜಿಲ್ಲೆಯಲ್ಲಿ ಕ್ರೀಡಾಂಗಣ ನಿರ್ಮಾಣಕ್ಕಾಗಿ ಮಂಜೂರಾದ ಒಟ್ಟು ಅನುದಾನ ಎಷ್ಟು; (ವಿವರ ನೀಡುವುದು) | 1. ಯಾದಗಿರಿ ಜಿಲ್ಲೆಯ ಜಿಲ್ಲಾ ಕ್ರೀಡಾಂಗಣಕ್ಕೆ ರಸ್ತೆ ಮತ್ತು ಚರಂಡಿ ನಿರ್ಮಾಣಕ್ಕೆ ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ರೂ 279.00 ಲಕ್ಷಗಳು ಮಂಜೂರಾಗಿರುತ್ತದೆ. ಕಾಮಗಾರಿ ಭೌತಿಕವಾಗಿ ಪೂರ್ಣವಾಗಿದ್ದು, ಸಾರ್ವಜನಿಕ ಸೇವೆಗೆ ಲಭ್ಯವಾಗಿದೆ.<br><br>2. ಯಾದಗಿರಿ ಜಿಲ್ಲಾ ಕ್ರೀಡಾಂಗಣದಲ್ಲಿ 400 ಮೀ ಟ್ರ್ಯಾಕ್, ಕಾಲುವೆ, ಮತ್ತು ಗ್ಯಾಲರಿ ನಿರ್ಮಾಣಕ್ಕೆ ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ರೂ. 465.60 ಲಕ್ಷಗಳು ಮಂಜೂರಾಗಿರುತ್ತದೆ. ಸದರಿ ಕಾಮಗಾರಿ ಪ್ರಗತಿಯಲ್ಲಿದೆ.<br><br>3. ಶಹಾಪುರ ನಗರದಲ್ಲಿ ಒಳಾಂಗಣ ಕ್ರೀಡಾಂಗಣ ನಿರ್ಮಾಣಕ್ಕಾಗಿ 2019-20ನೇ ಸಾಲಿನಲ್ಲಿ ರೂ. 200.00ಲಕ್ಷಗಳು ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ಸಾಮಾನ್ಯ ಯೋಜನೆಯಡಿಯಲ್ಲಿ ಮಂಜೂರಾಗಿದ್ದು, ಸದರಿ ಕಾಮಗಾರಿಯನ್ನು ಲೋಕೋಪಯೋಗಿ ಇಲಾಖೆಗೆ ವಹಿಸಲಾಗಿದೆ. ಈ ಕಾಮಗಾರಿಯು ಪೂರ್ಣಗೊಳ್ಳುವ ಹಂತದಲ್ಲಿರುತ್ತದೆ.<br><br>4. ಶಹಾಪುರ ತಾಲ್ಲೂಕು ಕ್ರೀಡಾಂಗಣದ ಕಾಮಗಾರಿಗಾಗಿ 2019-20ನೇ ಸಾಲಿನಲ್ಲಿ ರೂ. 200.00ಲಕ್ಷಗಳು ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ಸಾಮಾನ್ಯ ಯೋಜನೆಯಡಿಯಲ್ಲಿ ಮಂಜೂರಾಗಿದ್ದು, ಸದರಿ ಕಾಮಗಾರಿಯನ್ನು ಲೋಕೋಪಯೋಗಿ ಇಲಾಖೆಯು ನಿರ್ವಹಿಸಿದೆ. ಈ |

| | | |
|---|---|---|
| | | ಕಾಮಗಾರಿಯು ಪೂರ್ಣಗೊಂಡಿರುತ್ತದೆ.<br>5. ಸುರಪುರ ತಾಲ್ಲೂಕು ಕ್ರೀಡಾಂಗಣ ನಿರ್ಮಾಣಕ್ಕಾಗಿ 2014-15ನೇ ಸಾಲಿನಲ್ಲಿ ನಗರೋತ್ಥಾನ ಅಭಿವೃದ್ಧಿ ಅನುದಾನದಲ್ಲಿ ರೂ. 350.00 ಲಕ್ಷಗಳು ಮಂಜೂರಾಗಿದ್ದು, ಸದರಿ ಕಾಮಗಾರಿಯನ್ನು ನಿರ್ಮಿತಿ ಕೇಂದ್ರ, ಯಾದಗಿರಿ ಜಿಲ್ಲೆರವರಿಗೆ ವಹಿಸಲಾಗಿದೆ. ನೆಲ ಸಮತಟ್ಟು ಕಾಮಗಾರಿ ಪ್ರಗತಿಯಲ್ಲಿದೆ.<br>6. ಗುರುಮಿಠಕಲ್ ತಾಲ್ಲೂಕು ಕ್ರೀಡಾಂಗಣದಲ್ಲಿ ನೆಲ ಸಮತಟ್ಟು ಕಾಮಗಾರಿ, 400ಮೀ ಟ್ರ್ಯಾಕ್, ಒಳಾಂಗಣ ಕ್ರೀಡಾಂಗಣ ಮತ್ತು ಶೌಚಾಲಯ ನಿರ್ಮಾಣಕ್ಕಾಗಿ 2019-20ನೇ ಸಾಲಿನಲ್ಲಿ ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ರೂ. 150.00 ಲಕ್ಷಗಳು ಮಂಜೂರಾಗಿದ್ದು, ಈ ಕಾಮಗಾರಿಯ ಟೆಂಡರ್ ಪ್ರಕ್ರಿಯೆ ಪೂರ್ಣಗೊಂಡಿರುತ್ತದೆ. ಸದರಿ ಕಾಮಗಾರಿಯನ್ನು ಪಂಚಾಯತ್ ರಾಜ್ಯ ಇಂಜಿನೀಯರಿಂಗ್ ವಿಭಾಗ, ಯಾದಗಿರಿ ಜಿಲ್ಲೆ ಇವರಿಗೆ ವಹಿಸಲಾಗಿದೆ.<br>7. ಹುಣಸಿಗಿ ತಾಲ್ಲೂಕು ಒಳಾಂಗಣ ಕ್ರೀಡಾಂಗಣ ಮತ್ತು ಕ್ರೀಡಾಂಗಣ ಅಭಿವೃದ್ಧಿಗೊಳಿಸಲು 2019-20ನೇ ಸಾಲಿನಲ್ಲಿ ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ರೂ. 100.00ಲಕ್ಷಗಳು ಮಂಜೂರಾಗಿರುತ್ತದೆ.<br>8. ಹುಣಸಿಗಿ ತಾಲ್ಲೂಕು ಕ್ರೀಡಾಂಗಣ ನಿರ್ಮಾಣಕ್ಕಾಗಿ 2020-21ನೇ ಸಾಲಿನಲ್ಲಿ ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ರೂ 100.00ಲಕ್ಷಗಳು ಮಂಜೂರಾಗಿದ್ದು, ಈ ಕಾಮಗಾರಿಯ ಟೆಂಡರ್ ಪ್ರಕ್ರಿಯೆ ಪ್ರಗತಿಯಲ್ಲಿರುತ್ತದೆ. ಸದರಿ ಕಾಮಗಾರಿಯನ್ನು ಲೋಕೋಪಯೋಗಿ ಇಲಾಖೆ ವತಿಯಿಂದ ನಿರ್ಮಿಸಲಾಗುತ್ತಿದೆ. |
| ಆ) | ಮಂಜೂರಾದ ಅನುದಾನದಲ್ಲಿ ಇದುವರೆವಿಗೂ ಬಿಡುಗಡೆಯಾದ ಅನುದಾನ ಎಷ್ಟು; (ವಿವರ ನೀಡುವುದು) | ಯಾದಗಿರಿ ಜಿಲ್ಲೆಯ ಜಿಲ್ಲಾ ಕ್ರೀಡಾಂಗಣಕ್ಕೆ ರಸ್ತೆ ಮತ್ತು ಚರಂಡಿ ನಿರ್ಮಾಣಕ್ಕಾಗಿ 2019-20ನೇ ಸಾಲಿನಲ್ಲಿ ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ರೂ 182.90 ಲಕ್ಷಗಳು ಬಿಡುಗಡೆಯಾಗಿರುತ್ತದೆ. |

| | | |
|---|---|---|
| | | ಯಾದಗಿರಿ ಜಿಲ್ಲಾ ಕ್ರೀಡಾಂಗಣದಲ್ಲಿ 400 ಮೀ ಟ್ರ್ಯಾಕ್, ಕಾಲುವೆ, ಮತ್ತು ಗ್ಯಾಲರಿ ನಿರ್ಮಾಣ ಹಾಗೂ ಇತರೆ ಕಾಮಗಾರಿಗಳನ್ನು ಕೈಗೊಳ್ಳಲು ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ರೂ. 298.22 ಲಕ್ಷಗಳು ಬಿಡುಗಡೆಯಾಗಿರುತ್ತದೆ.<br><br>ಶಹಾಪುರ ನಗರದಲ್ಲಿ ಒಳಾಂಗಣ ಕ್ರೀಡಾಂಗಣ ನಿರ್ಮಾಣಕ್ಕಾಗಿ 2019-20ನೇ ಸಾಲಿನಲ್ಲಿ ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ರೂ. 97.06 ಲಕ್ಷಗಳು ಬಿಡುಗಡೆಯಾಗಿರುತ್ತದೆ.<br><br>ಶಹಾಪುರ ತಾಲ್ಲೂಕು ಕ್ರೀಡಾಂಗಣದ ಕಾಮಗಾರಿಗಾಗಿ 2019-20ನೇ ಸಾಲಿನಲ್ಲಿ ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ರೂ. 200.00ಲಕ್ಷಗಳು ಬಿಡುಗಡೆಯಾಗಿರುತ್ತದೆ. |
| ಇ) | ಸದರಿ ಕ್ರೀಡಾಂಗಣದ ನಿರ್ಮಾಣ ಕಾಮಗಾರಿ ಪೂರ್ಣಗೊಂಡು ಎಂದಿನಿಂದ ಸಾರ್ವಜನಿಕ ಸೇವೆಗೆ ಲಭ್ಯವಾಗುವುದು? (ವಿವರ ನೀಡುವುದು) | 1. ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ಕೈಗೊಳ್ಳಲಾಗುತ್ತಿರುವ ಯಾದಗಿರಿ ಜಿಲ್ಲೆಯ ಜಿಲ್ಲಾ ಕ್ರೀಡಾಂಣದ ರಸ್ತೆ ಮತ್ತು ಚರಂಡಿ ನಿರ್ಮಾಣ ಕಾಮಗಾರಿ ಭೌತಿಕವಾಗಿ ಪೂರ್ಣಗೊಂಡಿದ್ದು, ಆಗಸ್ಟ್-2021ಕ್ಕೆ ಸಾರ್ವಜನಿಕ ಬಳಕೆಗೆ ಲಭ್ಯವಾಗಿದೆ.<br>2. ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ಯಾದಗಿರಿ ಜಿಲ್ಲಾ ಕ್ರೀಡಾಂಗಣದಲ್ಲಿ 400 ಮೀ ಟ್ರ್ಯಾಕ್, ಕಾಲುವೆ, ಮತ್ತು ಗ್ಯಾಲರಿ ನಿರ್ಮಾಣದ ಕಾಮಗಾರಿ ಪ್ರಗತಿಯಲ್ಲಿದೆ. ನವೆಂಬರ್-2021ರ ಅಂತ್ಯಕ್ಕೆ ಸಾರ್ವಜನಿಕರ ಬಳಕೆಗೆ ಲಭ್ಯವಾಗುವುದು.<br>3. ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ಶಹಾಪುರ ನಗರದಲ್ಲಿ ಒಳಾಂಗಣ ಕ್ರೀಡಾಂಗಣ ಕಾಮಗಾರಿಯು ಪೂರ್ಣಗೊಳ್ಳುವ ಹಂತದಲ್ಲಿರುತ್ತದೆ. ನವೆಂಬರ್-2021ರ ಅಂತ್ಯಕ್ಕೆ ಸಾರ್ವಜನಿಕರ ಬಳಕೆಗೆ ಲಭ್ಯವಾಗುವುದು.<br>4. ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ಶಹಾಪುರ ತಾಲ್ಲೂಕು ಕ್ರೀಡಾಂಗಣದ ಕಾಮಗಾರಿಯು 2019-20ನೇ ಸಾಲಿನಲ್ಲಿ ಪೂರ್ಣಗೊಂಡಿರುತ್ತದೆ. ಈಗಾಗಲೇ ಸಾರ್ವಜನಿಕರ ಬಳಕೆಗೆ ಲಭ್ಯವಾಗಿದೆ. |

| | | |
|---|---|---|
| | | 5. ನಗರೋತ್ಥಾನ ಅಭಿವೃದ್ಧಿ ಅನುದಾನದಲ್ಲಿ ಕೈಗೊಳ್ಳಲಾಗುತ್ತಿರುವ ಸುರಪುರ ತಾಲ್ಲೂಕು ಕ್ರೀಡಾಂಗಣ ನಿರ್ಮಾಣಕ್ಕಾಗಿ ನೆಲ ಸಮತಟ್ಟು ಕಾಮಾಗಾರಿ ಪ್ರಗತಿಯಲ್ಲಿದ್ದು, ಮಾರ್ಚ್-2022ರ ಅಂತ್ಯಕ್ಕೆ ಸಾರ್ವಜನಿಕರ ಬಳಕೆಗೆ ಲಭ್ಯವಾಗುವುದು.<br><br>6. ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ಕೈಗೊಳ್ಳಲಾಗುತ್ತಿರುವ ಗುರುಮಿಠಕಲ್ ತಾಲ್ಲೂಕು ಕ್ರೀಡಾಂಗಣದ ನೆಲ ಸಮತಟ್ಟು ಕಾಮಗಾರಿ, 400ಮೀ ಟ್ರ್ಯಾಕ್, ಒಳಾಂಗಣ ಕ್ರೀಡಾಂಗಣ ಮತ್ತು ಶೌಚಾಲಯ ನಿರ್ಮಾಣ ಕಾಮಾಗಾರಿ ಪ್ರಗತಿಯಲ್ಲಿದ್ದು, ಮಾರ್ಚ್-2022ರ ಅಂತ್ಯಕ್ಕೆ ಸಾರ್ವಜನಿಕರ ಬಳಕೆಗೆ ಲಭ್ಯವಾಗುವುದು.<br><br>7. ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ಕೈಗೊಳ್ಳಲಾಗುತ್ತಿರುವ ಹುಣಸಿಗಿ ತಾಲ್ಲೂಕು ಒಳಾಂಗಣ ಕ್ರೀಡಾಂಗಣ ಮತ್ತು ಕ್ರೀಡಾಂಗಣ ಅಭಿವೃಧ್ಧಿ ಕಾಮಾಗಾರಿಯ ಟೆಂಡರ್ ಪ್ರಕ್ರಿಯೆ ಪ್ರಗತಿಯಲ್ಲಿದ್ದು, ಕ್ರೀಡಾಂಗಣವು ಮಾರ್ಚ್-2022ರ ಅಂತ್ಯಕ್ಕೆ ಸಾರ್ವಜನಿಕರ ಬಳಕೆಗೆ ಮುಕ್ತಗೊಳಿಸಲಾಗುವುದು.<br><br>8. ಕಲ್ಯಾಣ ಕರ್ನಾಟಕ ಅಭಿವೃದ್ಧಿ ಮಂಡಳಿ ವತಿಯಿಂದ ಕೈಗೊಳ್ಳಲಾಗುತ್ತಿರುವ ಹುಣಸಿಗಿ ತಾಲ್ಲೂಕು ಕ್ರೀಡಾಂಗಣ ನಿರ್ಮಾಣದ ಕಾಮಾಗಾರಿಯ ಟೆಂಡರ್ ಪ್ರಕ್ರಿಯೆ ಪ್ರಗತಿಯಲ್ಲಿರುತ್ತದೆ. ಈ ಕ್ರೀಡಾಂಗಣವು ಮಾರ್ಚ್-2022ರ ಅಂತ್ಯಕ್ಕೆ ಸಾರ್ವಜನಿಕರ ಸೇವೆಗೆ ಮುಕ್ತಗೊಳಿಸಲಾಗುವುದು. |

**ವೈಎಸ್‌ಡಿ/ಇಬಿಬಿ/132/2021**

**(ಡಾ. ನಾರಾಯಣಗೌಡ)**
ರೇಷ್ಮೆ, ಯುವ ಸಬಲೀಕರಣ ಮತ್ತು
ಕ್ರೀಡಾ ಸಚಿವರು.